

# ಕರ್ನಾಟಕ ವಿಧಾನ ಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

## **ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 17-03-2021 ಪ್ರಶ್ನೆ ಸಂಖ್ಯೆ : 1265 (1450)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಸುನೀಲ್ ವಲ್ಯಾಪುರ್ (ವಿಧಾನಸಭೆಯಿಂದ ಚುನಾಯಿತರಾದವರು)

ಉತ್ತರ ನೀಡಬೇಕಾದ ದಿನಾಂಕ : 17-03-2021

ಉತ್ತರಿಸುವ ಸಚಿವರು : ಸಮಾಜ ಕಲ್ಯಾಣ ಸಚಿವರು

ವಿಷಯ : ಪರಿಶಿಷ್ಟ ಜಾತಿ ಮತ್ತು ಪರಿಶಿಷ್ಟ ಪಂಗಡದವರ ಜಮೀನು ಮಾರಾಟಕ್ಕೆ ಸರ್ಕಾರದ ಅನುಮತಿ ಕುರಿತು

(ಅ) ರಾಜ್ಯದಲ್ಲಿ ಕಳೆದ ಮೂರು ವರ್ಷಗಳಲ್ಲಿ ಎಷ್ಟು ಜನರಿಗೆ ಪರಿಶಿಷ್ಟ ಜಾತಿ ಮತ್ತು ಪರಿಶಿಷ್ಟ ಪಂಗಡದವರ ಜಮೀನನ್ನು ಮಾರಾಟ ಮಾಡಲು ಸರ್ಕಾರಕ್ಕೆ ಅನುಮತಿ ಕೋರಿ ಸ್ವೀಕೃತವಾಗಿರುವ ಅರ್ಜಿಗಳೆಷ್ಟು ಮತ್ತು ಎಷ್ಟು ಜನರಿಗೆ ಮಾರಾಟ ಮಾಡಲು ಸರ್ಕಾರದಿಂದ ಅನುಮತಿ ನೀಡಲಾಗಿದೆ ; (ಜಿಲ್ಲಾವಾರು, ತಾಲ್ಲೂಕುವಾರು ಮಾಹಿತಿ ನೀಡುವುದು)

(ಆ) ಮಾರಾಟ ಮಾಡಲು ಸರ್ಕಾರದಿಂದ ಅನುಮತಿ ಪಡೆಯದೆ ಜಮೀನನ್ನು ಮಾರಾಟ ಮಾಡಿರುವ ಪ್ರಕರಣಗಳೆಷ್ಟು ; (ಜಿಲ್ಲಾವಾರು, ತಾಲ್ಲೂಕುವಾರು ಮಾಹಿತಿ ನೀಡುವುದು)

(ಇ) ಮಾರಾಟ ಮಾಡಲು ಅನುಮತಿ ಪಡೆದವರು ನಿಯಮಾವಳಿಯಂತೆ ಬದಲಿ ಜಾಗವನ್ನು ಖರೀದಿ ಮಾಡುತ್ತಿದ್ದಾರೆಯೇ ; ಮಾಡಿದ್ದಲ್ಲಿ, ಕಳೆದ ಮೂರು ವರ್ಷಗಳಲ್ಲಿ ಬದಲಿ ಜಾಗವನ್ನು ಖರೀದಿ ಮಾಡಿರುವವರ ಸಂಖ್ಯೆ ಎಷ್ಟು ? (ಜಿಲ್ಲಾವಾರು, ತಾಲ್ಲೂಕುವಾರು ಮಾಹಿತಿ ನೀಡುವುದು)